# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಏಳನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 21ನೇ ಸೆಪ್ಟೆಂಬರ್, 2020
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಸಂತಾಪ ಸೂಚನೆ

**(ಮೃತರ ಗೌರವಾರ್ಥ ಸದನ ಮುಂದೂಡಿ, ಪುನಃ ಸಮಾವೇಶಗೊಂಡ ನಂತರ)**

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

### 3. ಕಾರ್ಯದರ್ಶಿಯವರ ವರದಿ

**ಕಾರ್ಯದರ್ಶಿಯವರು:-**

ಕಳೆದ ಅಧಿವೇಶನದಲ್ಲಿ ವರದಿಯನ್ನು ಒಪ್ಪಿಸಿದ ನಂತರ ರಾಷ್ಟ್ರಪತಿಗಳು / ರಾಜ್ಯಪಾಲರಿಂದ ಒಪ್ಪಿಗೆ ಪಡೆದ ವಿಧೇಯಕಗಳ ಪಟ್ಟಿಯನ್ನು ಸಭೆಯ ಮುಂದೆ ಮಂಡಿಸುವುದು.

... 2/ ..

## 4. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**I. ಶ್ರೀ ಬಿ.ಎಸ್. ಯಡಿಯೂರಪ್ಪ (ಮುಖ್ಯಮಂತ್ರಿಗಳು) ಅವರು:**

ಅ) ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ 2018–19ನೇ ಸಾಲಿನ ಧನವಿನಿಯೋಗ ಲೆಕ್ಕಗಳು ಮತ್ತು ಹಣಕಾಸು ಲೆಕ್ಕಗಳನ್ನು (ಸಂಪುಟ I ಮತ್ತು II) ಸಭೆಯ ಮುಂದಿಡುವುದು.

ಆ) ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ಮಾರ್ಚ್ 2019ಕ್ಕೆ ಕೊನೆಗೊಂಡ ವರ್ಷದ ರಾಜ್ಯ ಸರ್ಕಾರದ ಹಣಕಾಸಿನ ವ್ಯವಹಾರಗಳ ಲೆಕ್ಕಪರಿಶೋಧನಾ ವರದಿಯನ್ನು ಸಭೆಯ ಮುಂದಿಡುವುದು:

**II.** ಮಾನ್ಯ ಸದಸ್ಯರುಗಳಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೊದಲನೇ ಹಾಗೂ ಎರಡನೇ ಪಟ್ಟಿಯ ರೀತ್ಯಾ.

## 5. ವರದಿಯನ್ನೊಪ್ಪಿಸುವುದು

**ಶ್ರೀ ಎಸ್. ರಘು** (ಅಧ್ಯಕ್ಷರು; ಜಂಟಿ ಪರಿಶೀಲನಾ ಸಮಿತಿ) ಅವರು 2020ನೇ ಸಾಲಿನ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವಿಧೇಯಕವನ್ನು ಪರಿಶೀಲಿಸಲು ರಚಿಸಲಾಗಿರುವ ಜಂಟಿ ಪರಿಶೀಲನಾ ಸಮಿತಿಯ ವಿಶೇಷ ವರದಿಯನ್ನೊಪ್ಪಿಸುವುದು.

... 3/ ..

## 6. ಚುನಾವಣಾ ಪ್ರಸ್ತಾವ

**ಶ್ರೀ ಜೆ.ಸಿ. ಮಾಧುಸ್ವಾಮಿ, (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು)** ಅವರು:–

ಕರ್ನಾಟಕ ವಿಧಾನಸಭೆಯ ಕಾರ್ಯವಿಧಾನ ಹಾಗೂ ನಡವಳಿಕೆಯ ನಿಯಮಗಳ ಅನುಸಾರವಾಗಿ ವರ್ಗಾಯಿಸಬಹುದಾದ ಒಂಟಿ ಮತದ ಮೂಲಕ ದಾಮಾಷಾ ಪ್ರಾತಿನಿಧ್ಯದ ತತ್ವದ ಆಧಾರದ ಮೇಲೆ:

1) 265(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಲೆಕ್ಕಪತ್ರಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
2) 268(1)ನೇ ನಿಯಮದ ಅನುಸಾರವಾಗಿ **ಅಂದಾಜುಗಳ ಸಮಿತಿಗೆ ಹದಿನೆಂಟು ಜನ ಸದಸ್ಯರನ್ನು**
3) 271(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಉದ್ದಿಮೆಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
4) 272(1)ನೇ ನಿಯಮದ ಅನುಸಾರವಾಗಿ **ಹಕ್ಕುಬಾಧ್ಯತೆಗಳ ಸಮಿತಿಗೆ ಒಂಭತ್ತು ಜನ ಸದಸ್ಯರನ್ನು**
5) 277(1)ನೇ ನಿಯಮದ ಅನುಸಾರವಾಗಿ **ಅಧೀನ ಶಾಸನ ರಚನಾ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
6) 281ನೇ ನಿಯಮದ ಅನುಸಾರವಾಗಿ **ಸರ್ಕಾರಿ ಭರವಸೆಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
7) 283(1)ನೇ ನಿಯಮದ ಅನುಸಾರವಾಗಿ **ಖಾಸಗಿ ವಿಧೇಯಕಗಳ ಹಾಗೂ ನಿರ್ಣಯಗಳ ಸಮಿತಿಗೆ ಹತ್ತು ಜನ ಸದಸ್ಯರನ್ನು**
8) 286ನೇ ನಿಯಮದ ಅನುಸಾರವಾಗಿ **ಅನುಸೂಚಿತ ಜಾತಿ ಮತ್ತು ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
9) 288ನೇ ನಿಯಮದ ಅನುಸಾರವಾಗಿ **ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
10) 370(2)ನೇ ನಿಯಮದ ಅನುಸಾರವಾಗಿ **ವಸತಿ ಸೌಕರ್ಯಗಳ ಸಮಿತಿಗೆ ಹನ್ನೆರಡು ಜನ ಸದಸ್ಯರನ್ನು**

ಚುನಾಯಿಸಬೇಕೆಂದು ಕೋರುವುದು.

# 7. ಶಾಸನ ರಚನೆ

## I. ವಿಧೇಯಕಗಳನ್ನು ಹಿಂಪಡೆಯುವುದು

1. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2015ನೇ ಸಾಲಿನ ಕರ್ನಾಟಕ ನಗರಪಾಲಿಕೆಗಳು (ತಿದ್ದುಪಡಿ) ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು;

   ಆ) ಹಾಗೂ ವಿಧೇಯಕವನ್ನು ಹಿಂಪಡೆಯುವುದು.

2. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ವಿಶ್ವವಿದ್ಯಾನಿಲಯಗಳ ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು;

   ಆ) ಹಾಗೂ ವಿಧೇಯಕವನ್ನು ಹಿಂಪಡೆಯುವುದು.

## II. ವಿಧೇಯಕಗಳನ್ನು ಮಂಡಿಸುವುದು

1. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ಲೋಕಾಯುಕ್ತ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

   ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

2. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

   ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

3. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ಸಾರ್ವಜನಿಕ ವಲಯದ ಸಂಸ್ಥೆಗಳ ನೌಕರರ ಸೇವೆಗಳನ್ನು ಸಾರ್ವಜನಿಕ ಸೇವೆಗೆ ವಿಲೀನಗೊಳಿಸುವುದಕ್ಕೆ ನಿಷೇಧ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

   ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

... 5/ ..

4. **ಶ್ರೀ ಗೋವಿಂದ ಎಂ. ಕಾರಜೋಳ (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಭಿಕ್ಷಾಟನೆ ನಿಷೇಧ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

5. **ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕನ್ನಡ ವಿಶ್ವವಿದ್ಯಾನಿಲಯ ಮತ್ತು ಇತರ ಕೆಲವು ಕಾನೂನುಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

6. **ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ರಾಜ್ಯ ಮುಕ್ತ ವಿಶ್ವವಿದ್ಯಾನಿಲಯ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

7. **ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ವಿಧಾನ ಮಂಡಲದ ಸಂಬಳಗಳು, ನಿವೃತ್ತಿ ವೇತನಗಳು ಮತ್ತು ಭತ್ಯೆಗಳು ಹಾಗೂ ಕೆಲವು ಇತರ ಕಾನೂನು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

8. **ಶ್ರೀ ಜಗದೀಶ್ ಶೆಟ್ಟರ್ (ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕಾ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಕೈಗಾರಿಕೆಗಳ (ಸೌಲಭ್ಯ) (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

9. **ಶ್ರೀ ಕೆ.ಸಿ. ನಾರಾಯಣಗೌಡ (ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಪೌರಸಭೆಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## III. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ಲೋಕಾಯುಕ್ತ (ಎರಡನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಶ್ರೀ ಗೋವಿಂದ ಎಂ. ಕಾರಜೋಳ (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ಭಿಕ್ಷಾಟನೆ ನಿಷೇಧ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

   ಅ) 2020ನೇ ಸಾಲಿನ ಕನ್ನಡ ವಿಶ್ವವಿದ್ಯಾನಿಲಯ ಮತ್ತು ಇತರ ಕೆಲವು ಕಾನೂನುಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

4. **ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:–**

   ಅ) 2020ನೇ ಸಾಲಿನ ಕರ್ನಾಟಕ ವಿಧಾನ ಮಂಡಲದ ಸಂಬಳಗಳು, ನಿವೃತ್ತಿ ವೇತನಗಳು ಮತ್ತು ಭತ್ಯೆಗಳು ಹಾಗೂ ಕೆಲವು ಇತರ ಕಾನೂನು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

   ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
http://kla.kar.nic.in/assembly/lob/lob.htm